ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಬುಧವಾರ, ದಿನಾಂಕ: 17ನೇ ಜುಲೈ, 2019

ನೂತನ ತಾಲ್ಲೂಕುಗಳ ಬಗ್ಗೆ

ಶ್ರೀಎನ್.ಎಸ್.ಬೋಸ್‌ರಾಜು(ವಿಧಾನಸಭೆಯಿಂದಚುನಾಯಿತರಾದವರು):-

213 (311) ಮಾನ್ಯ ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ರಾಯಚೂರು ಜಿಲ್ಲೆಯಲ್ಲಿ ನೂತನವಾಗಿ ಘೋಷಣೆಯಾಗಿರುವ ಸಿರವಾರ ಹಾಗೂ ಮಸ್ಕಿ ತಾಲ್ಲೂಕುಗಳಲ್ಲಿ ಪೂರ್ಣ ಪ್ರಮಾಣದ ಕಾರ್ಯನಿರ್ವಹಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು;

(ಆ) ರಾಯಚೂರಿನಲ್ಲಿ ನೂತನ ಜಿಲ್ಲಾಧಿಕಾರಿಗಳ ಭವನದ ನಿರ್ಮಾಣಕ್ಕೆ ಸರ್ಕಾರ ನೀಡಿರುವ ಅನುದಾನ ಎಷ್ಟು; ಸದರಿ ಭವನದ ನಿರ್ಮಾಣಕ್ಕೆ ತಗಲುವ ವೆಚ್ಚ ಎಷ್ಟು;

(ಇ) ರಾಯಚೂರು ಇಲ್ಲಿ ಈದ್ಗಾ ಮೈದಾನ ನಿರ್ಮಾಣಕ್ಕೆ ಸರ್ಕಾರಿ ಭೂಮಿ ಮಂಜೂರಾತಿ ನೀಡಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು;

(ಈ) ಮಾನ್ವಿ ಪಟ್ಟಣದಲ್ಲಿ ಮಿನಿ ವಿಧಾನಸೌಧ ನಿರ್ಮಾಣ ಮಾಡಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು?